# ಕರ್ನಾಟಕ ವಿಧಾನ ಪರಿಷತ್ತು

1. ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ ; 617
2. ವಿಧಾನ ಪರಿಷತ್ತ ಸದಸ್ಯರು : ಶ್ರೀ ಅರುಣ ಶಹಾಪುರ (ಶಿಕ್ಷಕರ ಕ್ಷೇತ್ರ)
3. ಉತ್ತರಿಸ ಬೇಕಾದ ದಿನಾಂಕ : 04.03.2021
4. ಉತ್ತರಿಸ ಬೇಕಾದ ಸಚಿವರು : ಮುಖ್ಯ ಮಂತ್ರಿ

| ಕ್ರಸಂ | ಪ್ರಶ್ನೆಗಳು | ಉತ್ತರಗಳು |
|---|---|---|
| (ಅ) | ಪ್ರಾಥಮಿಕ ಮತ್ತು ಪ್ರೌಢ ಶಿಕ್ಷಣ ಹಾಗೂ ಉನ್ನತ ಶಿಕ್ಷಣ ಇಲಾಖೆಯ ಅನುದಾನಿತ ಪ್ರಾಥಮಿಕ, ಪ್ರೌಢಶಾಲೆ, ಪದವಿ ಪೂರ್ವ ಹಾಗೂ ಪದವಿ ಕಾಲೇಜುಗಳಲ್ಲಿ ಖಾಲಿ ಹುದ್ದೆ ಭರ್ತಿ ಮಾಡುವ ಕುರಿತಂತೆ ಆರ್ಥಿಕ ಇಲಾಖೆಯು ಆರ್ಥಿಕ ಮಿತವ್ಯಯದ ಆದೇಶ ಹೊರಡಿಸಿ ಹುದ್ದೆ ಭರ್ತಿ ಮಾಡುವುದನ್ನು ತಡೆಹಿಡಿಯಲಾಗಿದೆಯೇ? | ಕೋವಿಡ್-19 ಸಾಂಕ್ರಾಮಿಕ ರೋಗದಿಂದಾಗಿ ರಾಜ್ಯದಲ್ಲಿ ತೀವ್ರ ಆರ್ಥಿಕ ಸಂಕಷ್ಟ ಸೃಷ್ಟಿಯಾಗಿರುವ ಹಿನ್ನೆಲೆಯಲ್ಲಿ ಸುತ್ತೋಲೆ ಸಂಖ್ಯೆ: ಆಇ 157 ವೆಚ್ಚ-8 2020, ದಿನಾಂಕ:10.06.2020 ರನ್ವಯ ಖಾಸಗಿ ಅನುದಾನಿತ ಶಿಕ್ಷಣ ಸಂಸ್ಥೆಗಳಲ್ಲಿ ನಿವೃತ್ತಿ, ನಿಧನ ರಾಜೀನಾಮೆ ಇತರೆ ಯಾವುದೇ ಕಾರಣಗಳಿಂದ ಖಾಲಿಯಾಗುವ ಹುದ್ದೆಗಳನ್ನು 2020-21ನೇ ಸಾಲಿನಲ್ಲಿ ಭರ್ತಿ ಮಾಡುವುದನ್ನು ತಡೆಹಿಡಿಯಲಾಗಿರುತ್ತದೆ. |
| (ಆ) | ಆರ್ಥಿಕ ಇಲಾಖೆಯು ಹೊರಡಿಸಿರುವ ಆರ್ಥಿಕ ಮಿತವ್ಯಯದ ಆದೇಶವನ್ನು ಹಿಂಪಡೆಯುವಂತೆ ಅಥವಾ ಸಡಿಲಗೊಳಿಸುವಂತೆ ಈಗಾಗಲೇ ಪ್ರಸ್ತಾವನೆಯನ್ನು ಶಿಕ್ಷಣ ಇಲಾಖೆಯು ಮಂಡಿಸಿದೆಯೇ; ಮಂಡಿಸಿದ್ದಲ್ಲಿ ಪ್ರಸ್ತಾವನೆಯು ಯಾವ ಹಂತದಲ್ಲಿದೆ; | ಖಾಸಗಿ ಅನುದಾನಿತ ಪ್ರೌಢಶಾಲೆ, ಪದವಿ ಪೂರ್ವ ಮತ್ತು ಪದವಿ ಕಾಲೇಜುಗಳಲ್ಲಿ ದಿನಾಂಕ: 31.12.2015ರ ಅಂತ್ಯಕ್ಕೆ ನಿವೃತ್ತಿ, ಮರಣ, ರಾಜೀನಾಮೆ ಇತರೆ ಕಾರಣಗಳಿಂದ ಖಾಲಿ ಉಂಟಾಗಿರುವ ಹುದ್ದೆಗಳ ಪೈಕಿ ಈಗಾಗಲೇ ಸರ್ಕಾರದಿಂದ ಅನುಮೋದನೆಗೊಂಡು ನೇಮಕಾತಿ ಪ್ರಕ್ರಿಯೆಯು ಇಲಾಖೆಯಲ್ಲಿ ಅಂತಿಮ ಹಂತದಲ್ಲಿ ಬಾಕಿ ಇರುವ ಕ್ರಮವಾಗಿ 257, 173 ಮತ್ತು 340 ಬೋಧಕ ಹುದ್ದೆಗಳಿಗೆ ನೇಮಕಾತಿ ಆದೇಶವನ್ನು 2021-22ನೇ ಶೈಕ್ಷಣಿಕ ವರ್ಷ ಪ್ರಾರಂಭಗೊಂಡ ನಂತರ ನೀಡಲು ಸಹಮತಿಸಲಾಗಿರುತ್ತದೆ. |
| (ಇ) | ಈ ಆದೇಶವನ್ನು ಸಡಿಲಗೊಳಿಸಿ ಖಾಲಿ ಹುದ್ದೆಗಳ ಭರ್ತಿಗೆ ಹಾಗೂ ವೇತನದ ಹಂತಕ್ಕೆ ಬಂದ ಪ್ರಸ್ತಾವನೆಗಳನ್ನು ಅನುಮೋದಿಸಿ ವೇತನ ಬಿಡುಗಡೆಗೊಳಿಸಲು ಸರ್ಕಾರ ಕ್ರಮ ಕೈಗೊಳ್ಳುವುದೇ; | |
| (ಈ) | ಆರ್ಥಿಕ ಇಲಾಖೆಯ ಆರ್ಥಿಕ ಮಿತಿಯವ್ಯಯದ ಆದೇಶ (ಸುತ್ತೋಲೆ ಸಂಖ್ಯೆ:ಆಇ 157 ವೆಚ್ಚ-8 2020)ವನ್ನು ಹಿಂಪಡೆಯಲಾಗುವುದು ಯಾವಾಗ? | ರಾಜ್ಯದ ಆರ್ಥಿಕ ಸ್ಥಿತಿಯು ಸುಸ್ಥಿತಿಗೆ ಬಂದ ನಂತರ ಸುತ್ತೋಲೆ ಸಂಖ್ಯೆ:ಆಇ 157 ವೆಚ್ಚ-8 2020, ದಿನಾಂಕ:10.06.2020ನ್ನು ಹಿಂಪಡೆಯುವ ಬಗ್ಗೆ ಪರಿಶೀಲಿಸಲಾಗುವುದು. |

ಸಂಖ್ಯೆ:ಆಇ 46 ವೆಚ್ಚ-8/2021

(ಬಿ.ಎಸ್.ಯಡಿಯೂರಪ್ಪ)
ಮುಖ್ಯಮಂತ್ರಿ